## ಕರ್ನಾಟಕ ವಿಧಾನ ಪರಿಷತ್ತಿನ

1. ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ: 848 (958)
2. ಮಾನ್ಯ ಸದಸ್ಯರ ಹೆಸರು : ಶ್ರೀ ಪಿ. ಆರ್. ರಮೇಶ್ (ನಾಮನಿರ್ದೇಶನ ಹೊಂದಿದವರು)
3. ಉತ್ತರಿಸಬೇಕಾದ ದಿನಾಂಕ : 28/09/2020
4. ಉತ್ತರಿಸುವವರು : ಮಾನ್ಯ ಕಾರ್ಮಿಕ ಮತ್ತು ಸಕ್ಕರೆ ಸಚಿವರು

| ಕ್ರ ಸಂ. | ಪ್ರಶ್ನೆ | ಉತ್ತರ |
|---|---|---|
| ಅ) | ಕಳೆದ 3 ವರ್ಷಗಳಿಂದ ರಾಜ್ಯದ ಕಾರ್ಮಿಕರ ಕಲ್ಯಾಣ ನಿಧಿಯ ಬೊಕ್ಕಸದಲ್ಲಿ ಕಾರ್ಮಿಕರ ಉಪಕರ (Labour Cess) ಮುಖಾಂತರ ಸಂಗ್ರಹವಾದ ಒಟ್ಟು ಮೊತ್ತವೆಷ್ಟು: (ವರ್ಷವಾರು ವಿವರ ನೀಡುವುದು) | ಕರ್ನಾಟಕ ಕಟ್ಟಡ ಮತ್ತು ಇತರೆ ನಿರ್ಮಾಣ ಕಾರ್ಮಿಕರ ಕಲ್ಯಾಣ ಮಂಡಳಿಯ ಕಾರ್ಮಿಕರ ಕಲ್ಯಾಣ ನಿಧಿಯ ಬೊಕ್ಕಸಕ್ಕೆ ಕಳೆದ ಮೂರು ವರ್ಷಗಳಲ್ಲಿ ರಾಜ್ಯದ ಕಾರ್ಮಿಕರ ಉಪಕರ (Labour Cess) ಮುಖಾಂತರ ಸಂಗ್ರಹವಾದ ಮೊತ್ತವು ಈ ಕೆಳಕಂಡಂತಿದೆ.<br><br>ಕ್ರ.ಸಂ \| ವರ್ಷ \| ಸುಂಕ ಸಂಗ್ರಹಣೆಯಾದ ಮೊತ್ತ ರೂ.ಗಳಲ್ಲಿ<br>1 \| 2017-18 \| 769,93,35,557/-<br>2 \| 2018-19 \| 868,53,08,302/-<br>3 \| 2019-20 \| 902,30,39,219/-<br>ಒಟ್ಟು \| 2540,76,83,078/- |
| ಆ) | ಈ ಸಂಗ್ರಹವಾದ ನಿಧಿಯಲ್ಲಿರುವ ಹಣವನ್ನು ಸರ್ಕಾರ ಯಾವ ಯಾವ ಯೋಜನೆಗಳಿಗೆ ಅನುದಾನವಾಗಿ ಉಪಯೋಗಿಸಲು ಮಾರ್ಗಸೂಚಿಗಳು ಅಸ್ಥಿತ್ವದಲ್ಲಿದೆ: (ವಿವರ ನೀಡುವುದು) | ಕಟ್ಟಡ ಮತ್ತು ಇತರೆ ನಿರ್ಮಾಣ (ಉದ್ಯೋಗದ ಕ್ರಮೀಕರಣ ಮತ್ತು ಸೇವಾ ಷರತ್ತುಗಳು) ಕರ್ನಾಟಕ ನಿಯಮಗಳು 2006 ರ ಅಡಿಯಲ್ಲಿ ನೋಂದಾಯಿತ ಕಾರ್ಮಿಕರು ಹಾಗೂ ಅವರ ಅವಲಂಬಿತರಿಗಾಗಿ ರೂಪಿತವಾದ 19 ವಿವಿಧ ರೀತಿಯ ಕಲ್ಯಾಣ ಮತ್ತು ಸಾಮಾಜಿಕ ಭದ್ರತಾ ಸೌಲಭ್ಯಗಳಿಗೆ ಅನುದಾನವಾಗಿ ಉಪಯೋಗಿಸಿಕೊಳ್ಳಲಾಗುತ್ತಿದೆ. ಸೌಲಭ್ಯಗಳ ವಿವರವನ್ನು **ಅನುಬಂಧ-1** ರಲ್ಲಿ ನೀಡಿದೆ. |
| ಇ) | ಪ್ರಸ್ತುತ ಕರೋನ ಮಹಾಮಾರಿ ಹಿನ್ನಲೆಯಲ್ಲಿ ರಾಜ್ಯದಲ್ಲಿ ಸಂಕಷ್ಟಕ್ಕೆ ಗುರಿಯಾಗಿರುವ ಅನೇಕ ಕಾರ್ಮಿಕರ ಮತ್ತು ಅವರ ಅವಲಂಬಿತ ಕುಟುಂಬಗಳ ಶ್ರೇಯೋಭಿವೃದ್ಧಿಗೆ ಈ ನಿಧಿಯನ್ನು ಸರ್ಕಾರ ಬಳಕೆ ಮಾಡಲು ಚಿಂತಿಸಿದೆಯೇ: (ವಿವರ ನೀಡುವುದು) ಬಳಕೆ ಮಾಡಿದ್ದಲ್ಲಿ, ಸರ್ಕಾರವು ಈ ಅನುದಾನವನ್ನು ಯಾವ ರೀತಿಯಲ್ಲಿ ಉಪಯೋಗಿಸಿದೆ? (ಮಾಹಿತಿ ನೀಡುವುದು) | ಕೋವಿಡ್-19 ಲಾಕ್‌ಡೌನ್ ಸಮಯದಲ್ಲಿ ಕರ್ನಾಟಕ ಕಟ್ಟಡ ಮತ್ತು ಇತರೆ ನಿರ್ಮಾಣ ಕಾರ್ಮಿಕರ ಕಲ್ಯಾಣ ಮಂಡಳಿಯಿಂದ ಕಟ್ಟಡ ಕಾರ್ಮಿಕರ ಮತ್ತು ಅವರ ಅವಲಂಭಿತರ ಶ್ರೇಯೋಭಿವೃದ್ಧಿಗಾಗಿ ಕಟ್ಟಡ ಕಾರ್ಮಿಕರ ಕಲ್ಯಾಣ ನಿಧಿಯಿಂದ ಸೌಲಭ್ಯಗಳನ್ನು ಒದಗಿಸಲು ಚಿಂತಿಸಲಾಗಿತ್ತು.<br>ಅದರಂತೆ ಮಂಡಳಿಯ ಎಲ್ಲಾ ಕಟ್ಟಡ ಕಾರ್ಮಿಕರು ಮತ್ತು ಕಂದಾಯ ಹಾಗೂ ಪೋಲೀಸ್ ಇಲಾಖೆಯವರು ನೀಡಿದ ಮಾಹಿತಿಯನ್ವಯ ವಲಸೆ ಕಾರ್ಮಿಕರು ಮತ್ತು ಅಸಂಘಟಿತ ಕಾರ್ಮಿಕರ ರಕ್ಷಣೆಗಾಗಿ ಕ್ರಮಗಳನ್ನು ಕೈಗೊಂಡು ಕಾರ್ಮಿಕ ಕಲ್ಯಾಣ ನಿಧಿಯನ್ನು ಬಳಸಿಕೊಳ್ಳಲಾಗಿರುತ್ತದೆ. ವಿವರಗಳನ್ನು ಅನುಬಂಧ-2 ರಲ್ಲಿ ನೀಡಿದೆ.. |

ಕಾಇ 331 ಎಲ್‌ಇಟಿ 2020

(ಅರಬೈಲ್ ಶಿವರಾಂ ಹೆಬ್ಬಾರ್)
ಮಾನ್ಯ ಕಾರ್ಮಿಕ ಮತ್ತು ಸಕ್ಕರೆ ಸಚಿವರು

## ಅನುಬಂಧ-1

## ಕರ್ನಾಟಕ ಕಟ್ಟಡ ಮತ್ತು ಇತರೆ ನಿರ್ಮಾಣ ಕಾರ್ಮಿಕರ ಕಲ್ಯಾಣ ಮಂಡಳಿವತಿಯಿಂದ ಫಲಾನುಭವಿಗಳಿಗೆ ಸಿಗುವ ಸೌಲಭ್ಯಗಳು

1. **ಪಿಂಚಣಿ ಸೌಲಭ್ಯ: ಮೂರು ವರ್ಷ ಸದಸ್ಯತ್ವದೊಂದಿಗೆ 60 ವರ್ಷ ಪೂರೈಸಿದ ಫಲಾನುಭವಿಗೆ** ಮಾಸಿಕ **ರೂ.2,000/-**
2. **ಕುಟುಂಬ ಪಿಂಚಣಿ ಸೌಲಭ್ಯ:** ಮೃತ ಪಿಂಚಣಿದಾರರ ಪತಿ / ಪತ್ನಿ ಮಾಸಿಕ **ರೂ.1000/-**
3. **ದುರ್ಬಲತೆ ಪಿಂಚಣಿ:** ನೋಂದಾಯಿತ ಫಲಾನುಭವಿಯು ಖಾಯಿಲೆಗಳಿಂದ ಅಥವಾ ಕಟ್ಟಡ ಕಾಮಗಾರಿಗಳ ಅಪಘಾತದಿಂದ ಶಾಶ್ವತ/ಭಾಗಶಃ ಅಂಗವಿಕಲತೆ ಹೊಂದಿದ್ದರೆ ಮಾಸಿಕ **ರೂ.2,000/-** ಪಿಂಚಣಿ ಹಾಗೂ ಶೇಕಡವಾರು ದುರ್ಬಲತೆಯನ್ನಾಧರಿಸಿ ರೂ.2,00,000/- ದವರೆಗೆ ಅನುಗ್ರಹ ರಾಶಿ ಸಹಾಯಧನ.
4. **ಕನ್ನಡಕ, ಶ್ರವಣಯಂತ್ರ, ಕೃತಕ ಕೈಕಾಲು ಮತ್ತು ಗಾಲಿ ಕುರ್ಚಿ** ಮರುಪಾವತಿ ಸೌಲಭ್ಯ.
5. **ಟ್ರೈನಿಂಗ್-ಕಮ್-ಟೂಲ್‌ಕಿಟ್ ಸೌಲಭ್ಯ (ಶ್ರಮ ಸಾಮರ್ಥ್ಯ) : ರೂ.30,000/- ವರೆಗೆ**
6. **ಶ್ರಮ ಸಂಸಾರ ಸಾಮರ್ಥ್ಯ ತರಬೇತಿ ಸೌಲಭ್ಯ:** ನೋಂದಾಯಿತ ಫಲಾನುಭವಿಯ ಅವಲಂಬಿತರಿಗೆ
7. **ವಸತಿ ಸೌಲಭ್ಯ (ಕಾರ್ಮಿಕ ಗೃಹ ಭಾಗ್ಯ): ರೂ.2,00,000/-** ದವರೆಗೆ ಮುಂಗಡ ಸೌಲಭ್ಯ
8. **ಹೆರಿಗೆ ಸೌಲಭ್ಯ (ತಾಯಿ ಲಕ್ಷ್ಮೀ ಬಾಂಡ್):** ಮಹಿಳಾ ಫಲಾನುಭವಿಯ ಮೊದಲ ಎರಡು ಮಕ್ಕಳಿಗೆ ಹೆಣ್ಣು ಮಗುವಿನ ಜನನಕ್ಕೆ **ರೂ. 30,000/-** ಮತ್ತು ಗಂಡು ಮಗುವಿನ ಜನನಕ್ಕೆ **ರೂ.20,000/-**
9. **ಶಿಶು ಪಾಲನಾ ಸೌಲಭ್ಯ:**
10. **ಅಂತ್ಯಕ್ರಿಯೆ ವೆಚ್ಚ : ರೂ.4,000/-** ಹಾಗೂ ಅನುಗ್ರಹ ರಾಶಿ **ರೂ.50,000/-**ಸಹಾಯಧನ
11. **ಶೈಕ್ಷಣಿಕ ಸಹಾಯಧನ (ಕಲಿಕೆ ಭಾಗ್ಯ): ಫಲಾನುಭವಿಯ ಇಬ್ಬರು ಮಕ್ಕಳ ವಿದ್ಯಾಭ್ಯಾಸಕ್ಕಾಗಿ:**

| ಕ್ರ.ಸಂ | ತರಗತಿ (ಉತ್ತೀರ್ಣಕ್ಕೆ) | ವಾರ್ಷಿಕ ಸಹಾಯ ಧನ | |
|---|---|---|---|
| | | ಗಂಡು | ಹೆಣ್ಣು |
| I. | ನರ್ಸರಿ | 3,000 | 4,000 |
| II. | 1 ರಿಂದ 4ನೇ ತರಗತಿ | 3,000 | 4,000 |
| III. | 5 ರಿಂದ 8ನೇ ತರಗತಿ | 5,000 | 6,000 |
| IV. | 9 ಹಾಗೂ 10ನೇ ತರಗತಿ | 10,000 | 11,000 |
| V. | ಪ್ರಥಮ ಪಿಯುಸಿ ಮತ್ತು ದ್ವಿತೀಯ ಪಿ.ಯು.ಸಿ | 10,000 | 14,000 |
| VI. | ಐಟಿಐ | 12,000 | 15,000 |
| VII. | ಪದವಿ ಪ್ರತಿ ವರ್ಷಕ್ಕೆ | 15,000 | 20,000 |
| VIII. | ಸ್ನಾತಕೋತ್ತರ ಪದವಿ ಸೇರ್ಪಡೆಗೆ | 20,000 | 20,000 |
| | ಮತ್ತು ಪ್ರತಿ ವರ್ಷಕ್ಕೆ | 20,000 | 25,000 |
| IX. | ಇಂಜಿನಿಯರಿಂಗ್ ಕೋರ್ಸ್ ಬಿಇ/ ಬಿ.ಟೆಕ್ ಸೇರ್ಪಡೆಗೆ | 25,000 | 25,000 |
| | ಮತ್ತು ಪ್ರತಿ ವರ್ಷಕ್ಕೆ | 25,000 | 30,000 |
| X. | ವೈದ್ಯಕೀಯ ಕೋರ್ಸ್‌ಗೆ ಸೇರ್ಪಡೆಗೆ | 30,000 | 30,000 |
| | ಮತ್ತು ಪ್ರತಿ ವರ್ಷಕ್ಕೆ | 40,000 | 50,000 |
| XI. | ಡಿಪ್ಲೋಮಾ | 15,000 | 20,000 |
| XII. | ಎಂ.ಟೆಕ್ / ಎಂ.ಇ | 30,000 | 35,000 |
| XIII. | ಎಂ.ಡಿ (ವೈದ್ಯಕೀಯ) | 45,000 | 55,000 |
| XIV. | ಪಿಹೆಚ್‌ಡಿ (ಪ್ರತಿ ವರ್ಷಕ್ಕೆ) ಗರಿಷ್ಠ 03 ವರ್ಷ | 25,000 | 30,000 |

12. **ವೈದ್ಯಕೀಯ ಸಹಾಯಧನ (ಕಾರ್ಮಿಕ ಆರೋಗ್ಯ ಭಾಗ್ಯ):** ನೋಂದಾಯಿತ ಫಲಾನುಭವಿ ಹಾಗೂ ಅವರ ಅವಲಂಭಿತರಿಗೆ **ರೂ.300/-** ರಿಂದ **ರೂ.10,000/-ವರೆಗೆ**

13. **ಅಪಘಾತ ಪರಿಹಾರ:** ಮರಣ ಹೊಂದಿದ್ದಲ್ಲಿ **ರೂ.5,00,000/-**, ಸಂಪೂರ್ಣ ಶಾಶ್ವತ ದುರ್ಬಲತೆಯಾದಲ್ಲಿ **ರೂ.2,00,000/- ಮತ್ತು** ಭಾಗಶಃ ಶಾಶ್ವತ ದುರ್ಬಲತೆಯಾದಲ್ಲಿ **ರೂ.1,00,000/-**

14. **ಪ್ರಮುಖ ವೈದ್ಯಕೀಯ ವೆಚ್ಚ ಸಹಾಯಧನ (ಕಾರ್ಮಿಕ ಚಿಕಿತ್ಸಾ ಭಾಗ್ಯ):** ಹೃದ್ರೋಗ, ಕಿಡ್ನಿ ಜೋಡಣೆ, ಕ್ಯಾನ್ಸರ್ ಶಸ್ತ್ರಚಿಕಿತ್ಸೆ, ಕಣ್ಣಿನ ಶಸ್ತ್ರಚಿಕಿತ್ಸೆ, ಪಾರ್ಶ್ವವಾಯು, ಮೂಳೆ ಶಸ್ತ್ರಚಿಕಿತ್ಸೆ, ಗರ್ಭಕೋಶ ಶಸ್ತ್ರಚಿಕಿತ್ಸೆ, ಅಸ್ತಮ ಚಿಕಿತ್ಸೆ, ಗರ್ಭಪಾತ ಪ್ರಕರಣಗಳು, ಪಿತ್ತಕೋಶದ ತೊಂದರೆಗೆ ಸಂಬಂಧಿತ ಚಿಕಿತ್ಸೆ, ಮೂತ್ರ ಪಿಂಡದಲ್ಲಿನ ಕಲ್ಲು ತೆಗೆಯುವ ಚಿಕಿತ್ಸೆ, ಮೆದುಳಿನ ರಕ್ತಸ್ರಾವದ ಚಿಕಿತ್ಸೆ, ಅಲ್ಸರ್ ಚಿಕಿತ್ಸೆ, ಡಯಾಲಿಸಿಸ್ ಚಿಕಿತ್ಸೆ, ಕಿಡ್ನಿ ಶಸ್ತ್ರಚಿಕಿತ್ಸೆ, ಇ.ಎನ್.ಟಿ. ಚಿಕಿತ್ಸೆ ಮತ್ತು ಶಸ್ತ್ರಚಿಕಿತ್ಸೆ, ನರರೋಗ ಶಸ್ತ್ರಚಿಕಿತ್ಸೆ, ವ್ಯಾಸ್ಕ್ಯೂಲರ್ ಶಸ್ತ್ರಚಿಕಿತ್ಸೆ, ಅನ್ನನಾಳದ ಚಿಕಿತ್ಸೆ ಮತ್ತು ಶಸ್ತ್ರಚಿಕಿತ್ಸೆ, ಕರುಳಿನ ಶಸ್ತ್ರಚಿಕಿತ್ಸೆ, ಸ್ತನ ಸಂಬಂಧಿತ ಚಿಕಿತ್ಸೆ ಮತ್ತು ಶಸ್ತ್ರಚಿಕಿತ್ಸೆ, ಹರ್ನಿಯ ಶಸ್ತ್ರಚಿಕಿತ್ಸೆ, ಅಪೆಂಡಿಕ್ಸ್ ಶಸ್ತ್ರಚಿಕಿತ್ಸೆ, ಮೂಳೆ ಮುರಿತ/ಡಿಸ್‌ಲೊಕೇಶನ್ ಚಿಕಿತ್ಸೆ, ಇತರೆ ಔದ್ಯೋಗಿಕ ಖಾಯಿಲೆಗಳ ಚಿಕಿತ್ಸೆಗಳಿಗೆ **ರೂ.2,00,000/-**ವರೆಗೆ

15. **ಮದುವೆ ಸಹಾಯಧನ (ಗೃಹ ಲಕ್ಷ್ಮೀ ಬಾಂಡ್):** ಫಲಾನುಭವಿ ಅಥವಾ ಅವರ ಇಬ್ಬರು ಮಕ್ಕಳ ಮದುವೆಗೆ ತಲಾ **ರೂ.50,000/-**

16. **LPG ಸಂಪರ್ಕ ಸೌಲಭ್ಯ (ಕಾರ್ಮಿಕ ಅನಿಲ ಭಾಗ್ಯ):** ಅನಿಲ ಸಂಪರ್ಕದೊಂದಿಗೆ ಎರಡು ಬರ್ನರ್ ಸ್ಟೌವ್

17. **ಬಿಎಂಟಿಸಿ ಬಸ್ ಪಾಸ್ ಸೌಲಭ್ಯ:** ಬೆಂಗಳೂರು ಮಹಾನಗರ ಪಾಲಿಕೆ ವ್ಯಾಪ್ತಿಯಲ್ಲಿ ಕೆಲಸ ಮಾಡುತ್ತಿರುವಂತ'ಹ / ವಾಸಸ್ಥಳದಿಂದ ಬೆಂಗಳೂರಿಗೆ ಪ್ರಯಾಣಿಸುವ ನೋಂದಾಯಿತ ಕಟ್ಟಡ ಕಾರ್ಮಿಕರಿಗೆ

18. **ಕೆಎಸ್‌ಆರ್‌ಟಿಸಿ ಬಸ್ ಪಾಸ್‌ನ ಸೌಲಭ್ಯ:** ರಾಜ್ಯದಾದ್ಯಂತ ವಿದ್ಯಾಭ್ಯಾಸದಲ್ಲಿ ತೊಡಗಿರುವ ನೋಂದಾಯಿತ ಕಾರ್ಮಿಕರ ಇಬ್ಬರು ಮಕ್ಕಳಿಗೆ ( ಈ ಯೋಜನೆಯನ್ನು ಜಾರಿಗೊಳಿಸಲಾಗುತ್ತಿದೆ)

19. **ತಾಯಿ ಮಗು ಸಹಾಯ ಹಸ್ತ:** ಮಹಿಳಾ ಫಲಾನುಭವಿಯು ಮಗುವಿಗೆ ಜನ್ಮ ನೀಡಿದ ಸಂದರ್ಭದಲ್ಲಿ ಆಕೆಯ ಮಗುವಿನ ಶಾಲಾ ಪೂರ್ವ ಶಿಕ್ಷಣ ಮತ್ತು ಪೌಷ್ಠಿಕತೆಗಾಗಿ ಮಗುವಿಗೆ ಮೂರು ವರ್ಷಗಳು ತುಂಬುವವರೆಗೆ ವಾರ್ಷಿಕ **ರೂ.6,000/-** ಗಳ ಸಹಾಯಧನ.

## ಅನುಬಂಧ-2

**ಕೋವಿಡ್-19 ಲಾಕ್‌ಡೌನ್ ಸಮಯದಲ್ಲಿ ಕರ್ನಾಟಕ ಕಟ್ಟಡ ಮತ್ತು ಇತರೆ ನಿರ್ಮಾಣ ಕಾರ್ಮಿಕರ ಕಲ್ಯಾಣ ಮಂಡಳಿಯಿಂದ ಕೈಗೊಂಡ ಕ್ರಮಗಳು.**

1. ಮಾನ್ಯ ಮುಖ್ಯಮಂತ್ರಿಗಳ ಘೋಷಣೆಯಂತೆ 16,48,431 ಮಂಡಳಿಯ ಫಲಾನುಭವಿಗಳಿಗೆ ತಲಾ ರೂ.5,000/- ಗಳಂತೆ ಒಟ್ಟು ರೂ. 824.21 ಕೋಟಿ ಸಹಾಯ ಧನವನ್ನು ನೇರವಾಗಿ ಕಾರ್ಮಿಕರ ಬ್ಯಾಂಕ್ ಖಾತೆಗಳಿಗೆ ಜಮಾ ಮಾಡಲಾಗಿರುತ್ತದೆ.
2. ಕಟ್ಟಡ ಮತ್ತು ವಲಸೆ ಕಟ್ಟಡ ಕಾರ್ಮಿಕರಿಗೆ ಕೋರೋನಾ ವೈರಸ್ ಬಗ್ಗೆ ಅರಿವು ಮೂಡಿಸಲು ಮತ್ತು ಮಾಸ್ಕ್ ಸ್ಯಾನಿಟೈಸರ್ ಹಾಗೂ ಸೋಪುಗಳನ್ನು ಕಾರ್ಮಿಕರಿಗೆ ವಿತರಣೆ ಮಾಡಲು ಉಪ ವಿಭಾಗ ಮಟ್ಟದ ಕಾರ್ಮಿಕ ಅಧಿಕಾರಿಗಳಿಗೆ ತಲಾ ರೂ.10 ಲಕ್ಷಗಳಂತೆ ಒಟ್ಟು 4.25 ಕೋಟಿ ಬಿಡುಗಡೆ ಮಾಡಲಾಗಿರುತ್ತದೆ.
3. ಮಂಡಳಿಯ ವತಿಯಿಂದ ಬೆಂಗಳೂರಿನಲ್ಲಿ ಸ್ಥಾಪಿಸಲಾಗಿದ್ದ 10 ಶಿಶುಪಾಲನಾ ಕೇಂದ್ರಗಳಲ್ಲಿನ ಮಕ್ಕಳಿಗಾಗಿ Packed Nutrition Food & Toys ಗಳನ್ನು ಪೋಷಕರ ಮನೆಗಳಿಗೆ ತಲುಪಿಸಲಾಗಿರುತ್ತದೆ.
4. ಕಟ್ಟಡ ಮತ್ತು ವಲಸೆ ಕಟ್ಟಡ ಕಾರ್ಮಿಕರಿಗೆ ಆಹಾರ ಒದಗಿಸಲು ಮತ್ತು ಅವರ ಸಮಸ್ಯೆಗಳನ್ನು ಆಲಿಸಲು 24x7 ಸಹಾಯವಾಣಿ (155214) ಯನ್ನು ಸ್ಥಾಪಿಸಲಾಗಿದ್ದು ಇದಕ್ಕಾಗಿ ಇದುವರೆಗೂ 2.81 ಕೋಟಿಯಷ್ಟು ಖರ್ಚುಮಾಡಲಾಗಿರುತ್ತದೆ.
5. ವಸತಿ ರಹಿತ ಕಟ್ಟಡ ಮತ್ತು ವಲಸೆ ಕಟ್ಟಡ ಕಾರ್ಮಿಕರಿಗೆ ಜಿಲ್ಲಾಡಳಿತದ ಸಹಕಾರದೊಂದಿಗೆ ವಸತಿ ಸೌಲಭ್ಯ ಮತ್ತು 89.86 ಲಕ್ಷ ಸಿದ್ಧಪಡಿಸಿದ ಆಹಾರದ ಪ್ಯಾಕೆಟ್ ಗಳನ್ನು ವಿತರಿಸಲಾಗಿದ್ದು ಇದಕ್ಕಾಗಿ 24.59 ಕೋಟಿ ಖರ್ಚುಮಾಡಲಾಗಿರುತ್ತದೆ.
6. ಕಟ್ಟಡ ಮತ್ತು ವಲಸೆ ಕಟ್ಟಡ ಕಾರ್ಮಿಕರಿಗೆ 6.08 ಲಕ್ಷ ಆಹಾರ ಸಾಮಾಗ್ರಿಗಳ ಕಿಟ್ ಗಳನ್ನು ತಯಾರಿಸಿ ವಿತರಿಸಲಾಗಿದ್ದು ಇದಕ್ಕಾಗಿ 47.22 ಕೋಟಿ ಖರ್ಚುಮಾಡಲಾಗಿರುತ್ತದೆ.
7. ಕಂದಾಯ ಮತ್ತು ಇತರೆ ಇಲಾಖೆಗಳಿಂದ ವಲಸೆ ಕಟ್ಟಡ ಕಾರ್ಮಿಕರನ್ನು ತಮ್ಮ ತವರು ರಾಜ್ಯಗಳಿಗೆ ವಿಶೇಷ ಶ್ರಮಿಕ್ ರೈಲುಗಳ ಮೂಲಕ ಕಳುಹಿಸಲು ಅಗತ್ಯ ಕ್ರಮ ಕೈಗೊಂಡಿದ್ದು, ಸದರಿ ವಲಸೆ ಕಟ್ಟಡ ಕಾರ್ಮಿಕರುಗಳು ಲಾಕ್‌ಡೌನ್ ಸಂದರ್ಭದಲ್ಲಿ ತಮ್ಮ ತವರು ರಾಜ್ಯಗಳಿಗೆ ಶ್ರಮಿಕ್ ರೈಲುಗಳ ಮೂಲಕ ಪ್ರಯಾಣಿಸಿದ ಸಂದರ್ಭದಲ್ಲಿ ಮಂಡಳಿಯಿಂದ 1,08,115 ಸಿದ್ಧಪಡಿಸಿದ ಆಹಾರದ ಪ್ಯಾಕೆಟ್‌ಗಳನ್ನು ರೂ.75.66 ಲಕ್ಷ ವೆಚ್ಚದಲ್ಲಿ, 84,100 ಬೇಯಿಸಿದ ಮೊಟ್ಟೆಗಳನ್ನು ರೂ.8.41 ಲಕ್ಷ ವೆಚ್ಚದಲ್ಲಿ, 80,779 ಕೆ.ಜಿ ಹಣ್ಣುಗಳನ್ನು ರೂ.33.18 ಲಕ್ಷ ವೆಚ್ಚದಲ್ಲಿ ಮತ್ತು 75,400 ಪ್ಯಾಕೆಟ್ ಮಜ್ಜಿಗೆಗಳಿಗಾಗಿ ರೂ.5.81 ಲಕ್ಷ ಖರ್ಚುಮಾಡಲಾಗಿರುತ್ತದೆ.